# ಕರ್ನಾಟಕ ವಿಧಾನಸಭೆ

(15ನೇ ವಿಧಾನಸಭೆ)

ಹನ್ನೆರಡನೇ ಅಧಿವೇಶನ

## ಕಾರ್ಯಕಲಾಪಗಳ ಪಟ್ಟಿ

ಮಂಗಳವಾರ, ದಿನಾಂಕ 22ನೇ ಫೆಬ್ರವರಿ, 2022
(ಸಮಯ: ಬೆಳಿಗ್ಗೆ 11.00 ಗಂಟೆಗೆ)

----

### 1. ಪ್ರಶ್ನೋತ್ತರ

ಅ) ಸದನದಲ್ಲಿ ಉತ್ತರಿಸುವ ಪ್ರಶ್ನೆಗಳು : ಆರನೇ ಪಟ್ಟಿ

ಆ) ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆಗಳು : ಆರನೇ ಪಟ್ಟಿ

### 2. ರಾಜ್ಯಪಾಲರ ಭಾಷಣಕ್ಕೆ ಸಂಬಂಧಿಸಿದ ವಂದನಾರ್ಪಣಾ ಪ್ರಸ್ತಾವ

ರಾಜ್ಯಪಾಲರ ಭಾಷಣಕ್ಕೆ ಸಂಬಂಧಿಸಿದ ವಂದನಾರ್ಪಣಾ ಪ್ರಸ್ತಾವದ ಮೇಲೆ ಮುಂದುವರೆದ ಚರ್ಚೆ, ಸರ್ಕಾರದ ಉತ್ತರ ಹಾಗೂ ಮತಕ್ಕೆ ಹಾಕುವುದು.

### 3. ನಿಯಮ 69ರ ಮೇರೆಗೆ ಸಾರ್ವಜನಿಕ ಮಹತ್ವದ ಜರೂರು ವಿಷಯಗಳ ಬಗ್ಗೆ ಅಲ್ಪ ಕಾಲಾವಧಿ ಚರ್ಚೆ

**ಶ್ರೀ ಎ.ಟಿ. ರಾಮಸ್ವಾಮಿ ಅವರು** – ಬೆಂಗಳೂರು ನಗರ ಜಿಲ್ಲೆ ಬೇಗೂರು ಹೋಬಳಿ ಹುಳಿಮಾವು ಗ್ರಾಮದಲ್ಲಿ ಸರ್ಕಾರಿ ಭೂಮಿಯ ಹಕ್ಕು ದಾಖಲೆಗಳನ್ನು ಅಕ್ರಮವಾಗಿ ಖಾಸಗಿ ವ್ಯಕ್ತಿಯ ಹೆಸರುಗಳಿಗೆ ದಾಖಲೆ ಮಾಡಿರುವ ಅಧಿಕಾರಿಗಳ ವಿರುದ್ಧ ಶಿಸ್ತು ಕ್ರಮ ಕೈಗೊಳ್ಳುವ ಬಗ್ಗೆ ಹಾಗೂ ಇದೇ ರೀತಿ ರಾಜ್ಯದಲ್ಲಿ ಹಲವಾರು ಪ್ರಕರಣಗಳಲ್ಲಿ ಸರ್ಕಾರದ ಆಸ್ತಿ ಲೂಟಿಯಾಗುತ್ತಿರುವ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ಚರ್ಚೆ.

### 4. ಗಮನ ಸೆಳೆಯುವ ಸೂಚನೆಗಳು

1) **ಶ್ರೀ ಐಹೊಳೆ ದುರ್ಯೋಧನ ಮಹಾಲಿಂಗಪ್ಪ ಅವರು** – ಬೆಳಗಾವಿ ಜಿಲ್ಲೆ ರಾಯಭಾಗ ತಾಲ್ಲೂಕಿನ ಚಿಂಚಲಿ ಹಾಗೂ ಕಂಕಣವಾಡಿ ಪಟ್ಟಣಗಳಲ್ಲಿ ಅಟಲ್ ಜೀ ಸೇವಾ ಕೇಂದ್ರ ಪ್ರಾರಂಭಿಸುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

..2/

2) **ಶ್ರೀ ಸುರೇಶ್ ಗೌಡ ಅವರು** – ನಾಗಮಂಗಲ ವಿಧಾನಸಭಾ ಕ್ಷೇತ್ರ ವ್ಯಾಪ್ತಿಯಲ್ಲಿನ ಬೀಳು ಜಮೀನಿನ ಫಲಾನುಭವಿಗಳ ಹೆಸರನ್ನು ಆರ್.ಟಿ.ಸಿ.ಯಲ್ಲಿ ನಮೂದಿಸುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

3) **ಶ್ರೀ ರವಿ ಸುಬ್ರಮಣ್ಯ ಎಲ್.ಎ. ಅವರು** – ಬೃಹತ್ ಬೆಂಗಳೂರು ಮಹಾನಗರ ಪಾಲಿಕೆ ವ್ಯಾಪ್ತಿಯಲ್ಲಿ ಬೀದಿ ನಾಯಿಗಳ ಹಾವಳಿಯನ್ನು ತಡೆಗಟ್ಟಲು ಹಮ್ಮಿಕೊಂಡಿರುವ ಕಾರ್ಯಕ್ರಮಗಳು ಮತ್ತು ಬೀದಿ ನಾಯಿಗಳ ಪೋಷಣೆಗೆ ಬೆಂಗಳೂರಿನ ಹೊರವಲಯದಲ್ಲಿ ಜಾಗವನ್ನು ನಿಗದಿಪಡಿಸುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

4) **ಶ್ರೀ ಎಸ್. ರಾಮಪ್ಪ ಅವರು** – ಹರಿಹರ ವಿಧಾನಸಭಾ ಕ್ಷೇತ್ರದ ವ್ಯಾಪ್ತಿಯಲ್ಲಿರುವ ಭೈರನಪಾದ ಏತ ನೀರಾವರಿ ಯೋಜನೆ ಕಾಮಗಾರಿಗಾಗಿ ಅನುದಾನ ಬಿಡುಗಡೆ ಮಾಡುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

5) **ಶ್ರೀ ಎನ್. ಮಹೇಶ್ ಅವರು** – ಕೊಳ್ಳೆಗಾಲ ವಿಧಾನಸಭಾ ಕ್ಷೇತ್ರದ ಯಳಂದೂರು ಸರ್ಕಾರಿ ಆಸ್ಪತ್ರೆಯನ್ನು ಮೇಲ್ದರ್ಜೆಗೇರಿಸಿ, ನೂತನ ಕಟ್ಟಡ ನಿರ್ಮಿಸಿ ಅಗತ್ಯವಿರುವ ವೈದ್ಯಕೀಯ ಸಲಕರಣೆಗಳು ಹಾಗೂ ಪೀಠೋಪಕರಣಗಳನ್ನು ಒದಗಿಸುವ ಬಗ್ಗೆ ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ವೈದ್ಯಕೀಯ ಶಿಕ್ಷಣ ಸಚಿವರ ಗಮನ ಸೆಳೆಯುವುದು.

**ಎಂ.ಕೆ.ವಿಶಾಲಾಕ್ಷಿ**
**ಕಾರ್ಯದರ್ಶಿ(ಪ್ರ)**

---

**ವಿಧಾನಸಭೆಯ ಕಾರ್ಯಕಲಾಪಗಳ ಪಟ್ಟಿಯನ್ನು ಅಂತರ್ಜಾಲದ ಈ ವಿಳಾಸದಲ್ಲಿ ಪಡೆದುಕೊಳ್ಳಬಹುದು**
***http://kla.kar.nic.in/assembly/lob/lob.htm***